ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಸೋಮವಾರ, ದಿನಾಂಕ : 22ನೇ ಜುಲೈ, 2019

ಭೂ ಒಡೆತನ ಯೋಜನೆಯಲ್ಲಿನ ಅವ್ಯವಹಾರದ ಬಗ್ಗೆ

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು):-

457 (653) ಮಾನ್ಯ ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಬೀದರ್ ಜಿಲ್ಲೆಯಲ್ಲಿ ಡಾ: ಬಿ.ಆರ್. ಅಂಬೇಡ್ಕರ್ ಮತ್ತು ಮಹರ್ಷಿ ವಾಲ್ಮೀಕಿ ಅಭಿವೃದ್ಧಿ ನಿಗಮದಿಂದ ಭೂ ಒಡೆತನ ಯೋಜನೆಯಡಿ 2015 ರಿಂದ ಇಲ್ಲಿಯವರೆಗೆ ಎಷ್ಟು ಫಲಾನುಭವಿಗಳನ್ನು ಆಯ್ಕೆ ಮಾಡಲಾಗಿದೆ; (ಫಲಾನುಭವಿಗಳ ಹೆಸರು ಮತ್ತು ವಿಳಾಸ ಸಹಿತ ವಿವರವಾದ ಮಾಹಿತಿ ನೀಡುವುದು)

(ಆ) ಈ ಫಲಾನುಭವಿಗಳನ್ನು ಆಯ್ಕೆ ಮಾಡುವಲ್ಲಿ ಸರ್ಕಾರದ ಮಾನದಂಡಗಳೇನು; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಭೂ ಒಡೆತನ ಯೋಜನೆಯಡಿಯಲ್ಲಿ ಫಲಾನುಭವಿಗಳನ್ನು ಆಯ್ಕೆ ಮಾಡುವಾಗ ನಕಲಿ ಪ್ರಮಾಣ ಪತ್ರವನ್ನು ಸೃಷ್ಟಿಸಿ ಜಮೀನು ಹೊಂದಿರುವವರನ್ನೇ ಆಯ್ಕೆ ಮಾಡುವಲ್ಲಿ ಕೆಲವು ಅಧಿಕಾರಿಗಳು ಸೇರಿ ಭಾರೀ ಅವ್ಯವಹಾರ ಮಾಡಲಾಗಿದೆ ಎಂಬ ಗಂಭೀರ ಆರೋಪ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದರೆ, ಈ ಅಧಿಕಾರಿಗಳ ವಿರುದ್ಧ ಶಿಸ್ತು ಕ್ರಮ ಜರುಗಿಸಲಾಗಿದೆಯೇ; ಕ್ರಮ ಜರುಗಿಸದಿದ್ದರೆ, ಈ ವಿಷಯವನ್ನು ಗಂಭೀರವಾಗಿ ಪರಿಗಣಿಸಿ ಸಂಪೂರ್ಣವಾಗಿ ತನಿಖೆ ಮಾಡುವ ವಿಚಾರ ಸರ್ಕಾರದ ಮುಂದಿದೆಯೇ ; ಇದ್ದರೆ, ಯಾವ ಕಾಲಮಿತಿಯೊಳಗೆ ತನಿಖೆ ಮಾಡಲಾಗುವುದು ? (ಸಂಪೂರ್ಣ ಮಾಹಿತಿ ನೀಡುವುದು)